# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಎಂಟನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 07ನೇ ಡಿಸೆಂಬರ್, 2020
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

### 3. ಕಾರ್ಯದರ್ಶಿಯವರ ವರದಿ

**ಕಾರ್ಯದರ್ಶಿಯವರು:–**

ಕಳೆದ ಅಧಿವೇಶನದಲ್ಲಿ ವರದಿಯನ್ನು ಒಪ್ಪಿಸಿದ ನಂತರ ರಾಜ್ಯಪಾಲರಿಂದ ಒಪ್ಪಿಗೆ ಪಡೆದ ವಿಧೇಯಕಗಳ ಪಟ್ಟಿಯನ್ನು ಸಭೆಯ ಮುಂದೆ ಮಂಡಿಸುವುದು.

### 4. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

ಮಾನ್ಯ ಸದಸ್ಯರುಗಳಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೊದಲನೇ ಹಾಗೂ ಎರಡನೇ ಪಟ್ಟಿಯ ರೀತ್ಯಾ.

## 5. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಸ್. ಕುಮಾರ್ ಬಂಗಾರಪ್ಪ ಅವರು** – ಸೊರಬ ತಾಲ್ಲೂಕಿನಲ್ಲಿ ಮಲೆನಾಡು ಗಿಡ್ಡ ತಳಿಯ ಕೇಂದ್ರವನ್ನು ಸ್ಥಾಪಿಸುವ ಯೋಜನೆಯ ಬಗ್ಗೆ ಮಾನ್ಯ ಪಶುಸಂಗೋಪನೆ ಹಾಗೂ ಹಜ್ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

2) **ಶ್ರೀ ಕೆ.ವೈ. ನಂಜೇಗೌಡ ಅವರು** – ರಾಜ್ಯ ಸಹಕಾರಿ ಹಾಲು ಒಕ್ಕೂಟಗಳಿಂದ ಹಾಲಿನ ಪುಡಿಯನ್ನು ಖರೀದಿಸಿ ಬಿಪಿಎಲ್ ಮತ್ತು ಅಂತ್ಯೋದಯ ಕುಟುಂಬಗಳಿಗೆ ಉಚಿತವಾಗಿ ವಿತರಿಸುವ ಬಗ್ಗೆ ಮಾನ್ಯ ಆಹಾರ ಮತ್ತು ನಾಗರೀಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

3) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ್ ಅವರು** – ಬೆಳಗಾವಿ ಜಿಲ್ಲೆ ಕಿತ್ತೂರು ವಿಧಾನಸಭಾ ಕ್ಷೇತ್ರದ ನೇಸರಗಿ ಹೋಬಳಿ ಭಾಗದ ಬರ ಪೀಡಿತ ಗ್ರಾಮಗಳಿಗೆ ಕುಡಿಯುವ ನೀರು ಮತ್ತು ನೀರಾವರಿ ಸೌಲಭ್ಯ ಕಲ್ಪಿಸಲು ಚನ್ನವೃಷಭೇಂದ್ರ ಏತ ನೀರಾವರಿ ಯೋಜನೆಯ ಕಾಮಗಾರಿ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

4) **ಶ್ರೀ ಎಸ್.ಎನ್. ನಾರಾಯಣಸ್ವಾಮಿ ಕೆ.ಎಂ. ಅವರು** – ಬಂಗಾರಪೇಟೆ ಪಟ್ಟಣದ ಕೋದಂಡರಾಮಸ್ವಾಮಿ ದೇವಾಲಯದ ಖಾಲಿ ಜಾಗದಲ್ಲಿ ಪಾರ್ಕಿಂಗ್, ವಾಣಿಜ್ಯ ಸಂಕೀರ್ಣ, ಕಲ್ಯಾಣ ಮಂಟಪ ನಿರ್ಮಿಸಲು ಹಣ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಜರಾಯಿ, ಹಾಗೂ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

5) **ಶ್ರೀ ಟಿ.ಡಿ. ರಾಜೇಗೌಡ ಅವರು** – ಶೃಂಗೇರಿ ಕ್ಷೇತ್ರದ ಸೊಪ್ಪಿನ ಬೆಟ್ಟದಿಂದ ರೈತರನ್ನು ಒಕ್ಕಲೆಬ್ಬಿಸುವುದರಿಂದ ಉಂಟಾಗುವ ಸಮಸ್ಯೆಯ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

6) **ಡಾ|| ಅಜಯ್ ಧರ್ಮಸಿಂಗ್ ಅವರು** – ಜೇವರ್ಗಿ ಮತಕ್ಷೇತ್ರದಲ್ಲಿ ಹೋಬಳಿಗೆ ಒಂದರಂತೆ ಹತ್ತಿ ಖರೀದಿ ಕೇಂದ್ರ ತೆರೆಯುವ ಹಾಗೂ ಖರೀದಿ ಕೇಂದ್ರಗಳಲ್ಲಿ ವರ್ತಕರು/ ದಳ್ಳಾಳಿಗಳಿಂದ ರೈತರಿಗೆ ಆಗುತ್ತಿರುವ ತೊಂದರೆಗಳ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

7) **ಶ್ರೀ ರವೀಂದ್ರ ಶ್ರೀಕಂಠಯ್ಯ ಅವರು –**ಸಾಮಾಜಿಕ ಭದ್ರತಾ ಯೋಜನೆಯಡಿ ಪಿಂಚಣಿಯನ್ನು ಪಡೆಯುತ್ತಿರುವ ವೃದ್ಧರು ಹಾಗೂ ಮಹಿಳೆಯರಿಗೆ ಸಮರ್ಪಕವಾಗಿ ಹಾಗೂ ನಿಗದಿತ ಸಮಯದಲ್ಲಿ ಪಿಂಚಣಿಯನ್ನು ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

8) **ಶ್ರೀ ಎನ್. ಮಹೇಶ್ ಅವರು –**ಕೊಳ್ಳೇಗಾಲ ವಿಧಾನಸಭಾ ಕ್ಷೇತ್ರದ ಯಳಂದೂರು ಸರ್ಕಾರಿ ಆಸ್ಪತ್ರೆಯನ್ನು ತಾಲ್ಲೂಕು ಸಾರ್ವಜನಿಕ ಆಸ್ಪತ್ರೆಯನ್ನಾಗಿ ಮೇಲ್ದರ್ಜೆಗೆರಿಸಿ ಅಗತ್ಯ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

9) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು –** ವಿಜಯಪುರ ಜಿಲ್ಲೆಯ ಆಲಮಟ್ಟಿ ಜಲಾಶಯವನ್ನು ರಾಷ್ಟ್ರೀಕರಣಗೊಳಿಸಿ, ಕೃಷ್ಣಾ ಮೇಲ್ದಂಡೆ ಯೋಜನೆಯ ಎಲ್ಲಾ ಕಾಮಗಾರಿಗಳನ್ನು ಸಂಪೂರ್ಣಗೊಳಿಸುವ ಬಗ್ಗೆ ಮಾನ್ಯ ಜಲ ಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

10) **ಶ್ರೀ ಎಸ್.ಎ. ರಾಮದಾಸ್ ಅವರು –** ಕರ್ನಾಟಕದಲ್ಲಿ ವೈದ್ಯಕೀಯ ಪದವಿ ಪಡೆದ ವಿದ್ಯಾರ್ಥಿಗಳಿಗೆ ಗ್ರಾಮೀಣ ಸೇವೆಯನ್ನು ಕಡ್ಡಾಯಗೊಳಿಸಿ ರೂಪಿಸಲಾಗಿರುವ ನಿಯಮವನ್ನು ಪರಿಣಾಮಕಾರಿಯಾಗಿ ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm